# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1583
ಸದಸ್ಯರ ಹೆಸರು : ಶ್ರೀ ಸೂರಜ್ ರೇವಣ್ಣ
ಉತ್ತರಿಸುವ ದಿನಾಂಕ : 11-03-2022
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಕಳೆದ 3 ವರ್ಷದಿಂದ ಎಸ್.ಸಿ.ಪಿ/ ಟಿ.ಎಸ್.ಪಿ ಯೋಜನೆಯಡಿ ಮಂಜೂರಾದ ಅನುದಾನವನ್ನು ಆಯಾಯ ವರ್ಷದಲ್ಲಿ ಬಳಕೆ ಮಾಡದಿರುವ ಪ್ರಕರಣವೆಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು) | ಎಸ್.ಸಿ.ಎಸ್.ಪಿ/ಟಿ.ಎಸ್.ಪಿ ಯಡಿ ಬಿಡುಗಡೆಯಾದ ಅನುದಾನವನ್ನು ಆಯಾ ವರ್ಷ ಪೂರ್ಣ ಪ್ರಮಾಣದಲ್ಲಿ ವೆಚ್ಚ ಮಾಡಲು ಎಲ್ಲಾ ಇಲಾಖೆಗಳಿಂದ ಕ್ರಮ ವಹಿಸಲಾಗುತ್ತಿದೆ. ಆದಾಗ್ಯೂ ಕೆಲವು ಸಂದರ್ಭಗಳಲ್ಲಿ ಆರ್ಥಿಕ ವರ್ಷದ ಅಂತ್ಯದಲ್ಲಿ ಬಿಡುಗಡೆಯಾಗುವ ಅನುದಾನ ಉಳಿಕೆಯಾಗುತ್ತದೆ. ಕೆಲವು ಇಲಾಖೆಗಳಲ್ಲಿ ಕೇಂದ್ರ ಪುರಸ್ಕೃತ ಯೋಜನೆಯಡಿ ಆರ್ಥಿಕ ವರ್ಷದ ಅಂತ್ಯಕ್ಕೆ ಬಿಡುಗಡೆಯಾಗುವ ಅನುದಾನವನ್ನು ಪುನರ್ ಮೌಲ್ಯೀಕರಿಸಿ ಮುಂದಿನ ವರ್ಷ ವಿನಿಯೋಗಿಸಲು ಕ್ರಮ ವಹಿಸಲಾಗುತ್ತಿದೆ.<br><br>ಆಯಾ ಆರ್ಥಿಕ ವರ್ಷದಲ್ಲಿ ಉಳಿಕೆಯಾದ ಮೊತ್ತವನ್ನು ಲೆಕ್ಕ ಪರಿಶೋಧನೆಯಾದ ನಂತರ ಮುಂದಿನ ಆರ್ಥಿಕ ವರ್ಷದ ನಂತರದ ಆರ್ಥಿಕ ವರ್ಷದಲ್ಲಿ ಮರುಹಂಚಿಕೆ ಮಾಡಿ ಅನುದಾನವನ್ನು ವಿನಿಯೋಗಿಸಲು ಕ್ರಮ ವಹಿಸಲಾಗಿದೆ. ಈ ಹಿನ್ನೆಲೆಯಲ್ಲಿ ಇದಕ್ಕೆ ಸಂಬಂಧಿಸಿದಂತೆ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಂಡಿರುವುದಿಲ್ಲ. |
| ಆ) | ಖರ್ಚು ಮಾಡದಿರುವ ಅಧಿಕಾರಿಗಳನ್ನು 2013ರ ಕಾಯಿದೆಯನ್ವಯ ಶಿಕ್ಷೆಗೆ ಗುರಿಪಡಿಸಲಾಗಿದೆಯೇ ಇಂತಹ ಅಧಿಕಾರಿಗಳ ವಿರುದ್ಧ ಸರ್ಕಾರ ಮೊಕದ್ದಮೆ/ಕೇಸ್ ಹಾಕದಿರಲು ಕಾರಣವೇನು? (ಅಧಿಕಾರಿಗಳ ಹೆಸರು, ಹುದ್ದೆ ಮತ್ತು ಅಧಿಕಾರಿಗಳು ಕಾರ್ಯನಿರ್ವಹಿಸಿದ ಅವಧಿಯೊಂದಿಗೆ ವಿವರ ನೀಡುವುದು) | |

ಸಕಇ 230 ಎಸ್ಎಲ್ಪಿ 2022

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಹಾಗೂ
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು